ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ಪ್ರವಾಸೋದ್ಯಮ ಕ್ಷೇತ್ರಗಳ ಅಭಿವೃದ್ಧಿ ಬಗ್ಗೆ

ಶ್ರೀ ಸುನೀಲ್ ವಲ್ಯಾಪುರ್ (ವಿಧಾನಸಭೆಯಿಂದ ಚುನಾಯಿತರಾದವರು ):-

696 (725) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳ ಅವಧಿಯಲ್ಲಿ ರಾಜ್ಯದಲ್ಲಿ ಪ್ರವಾಸೋದ್ಯಮ ಸ್ಥಳಗಳ ಅಭಿವೃದ್ಧಿಯ ವಿಷಯಗಳಿಗೆ ಸಂಬಂಧಪಟ್ಟ ಎಷ್ಟು ಪ್ರಸ್ತಾವನೆಗಳನ್ನು ಕೇಂದ್ರ ಸರ್ಕಾರದ ಅನುಮೋದನೆಗಾಗಿ ಕಳುಹಿಸಲಾಗಿದೆ; (ಪೂರ್ಣ ವಿವರ ನೀಡುವುದು)

(ಆ) ಈ ಪೈಕಿ ಎಷ್ಟು ಪ್ರಸ್ತಾವನೆಗಳಿಗೆ ಈ ಅವಧಿಯಲ್ಲಿ ಕೇಂದ್ರ ಸರ್ಕಾರವು ಅನುಮೋದನೆ ನೀಡಿದೆ; ಇನ್ನೂ ಎಷ್ಟು ಪ್ರಸ್ತಾವನೆಗಳು ಕೇಂದ್ರ ಸರ್ಕಾರದ ಮುಂದೆ ಅನುಮೋದನೆಗಾಗಿ ಎಷ್ಟು ದಿನಗಳಿಂದ ಬಾಕಿ ಉಳಿದಿವೆ;

(ಇ) ಕಳೆದ ಮೂರು ವರ್ಷಗಳ ಅವಧಿಯಲ್ಲಿ ರಾಜ್ಯ ಹಾಗೂ ಕೇಂದ್ರ ಸರ್ಕಾರದ ನೆರವಿನೊಂದಿಗೆ ಯಾವ ಯಾವ ಪ್ರವಾಸೋದ್ಯಮ ಯೋಜನೆಗಳನ್ನು ಅನುಷ್ಠಾನಗೊಳಿಸಲಾಗಿದೆ; ಈ ಅವಧಿಯಲ್ಲಿ ರಾಜ್ಯದ ಯಾವ ಯಾವ ಪ್ರವಾಸೋದ್ಯಮ ಸ್ಥಳಗಳಲ್ಲಿ ಯಾವ ಯಾವ ಅಭಿವೃದ್ಧಿ ಕಾಮಗಾರಿಗಳನ್ನು ತೆಗೆದುಕೊಳ್ಳಲಾಗಿದೆ; (ಪೂರ್ಣ ವಿವರಗಳನ್ನು ಜಿಲ್ಲಾವಾರು ಅಂಕಿ ಅಂಶಗಳಲ್ಲಿ ಒದಗಿಸುವುದು)

(ಈ) ಕಳೆದ ಮೂರು ವರ್ಷಗಳಲ್ಲಿ ಮೇಲ್ಕಂಡ ಯೋಜನೆಗಳ ಅನುಷ್ಠಾನ ಮತ್ತು ಅಭಿವೃದ್ಧಿ ಕಾಮಗಾರಿಗಳಿಗೆ ಪ್ರತಿ ವರ್ಷ ಖರ್ಚು ಮಾಡಿದ ಹಣವೆಷ್ಟು; ಈ ಪೈಕಿ ರಾಜ್ಯ ಸರ್ಕಾರ ಮತ್ತು ಕೇಂದ್ರ ಸರ್ಕಾರ ಎಷ್ಟೆಷ್ಟು ಹಣವನ್ನು ವೆಚ್ಚ ಮಾಡಿರುತ್ತದೆ; (ಪ್ರತಿ ಯೋಜನೆಗಳು ಮತ್ತು ಅಭಿವೃದ್ಧಿ ಕಾಮಗಾರಿಗಳಿಗಾಗಿ ವೆಚ್ಚ ಮಾಡಿದ ಹಣದ ಪೂರ್ಣ ಮಾಹಿತಿಯನ್ನು ಜಿಲ್ಲಾವಾರು ಅಂಕಿ ಅಂಶಗಳನ್ನು ಒದಗಿಸುವುದು)

(ಉ) ಕಲಬುರಗಿ ಜಿಲ್ಲೆಗೆ ಯಾವುದಾದರೂ ಪ್ರವಾಸೋದ್ಯಮ ಅಭಿವೃದ್ಧಿ ಯೋಜನೆಯನ್ನು ಇಲಾಖೆಯಿಂದ ಹಮ್ಮಿಕೊಳ್ಳಲಾಗಿದೆಯೇ?